


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 15-03-2021 ಪ್ರಶ್ನೆ ಸಂಖ್ಯೆ : 1078(1078)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಸ್. ನಾಗರಾಜ್(ಸಂದೇಶ್ ನಾಗರಾಜ್)(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 15-03-2021

ಉತ್ತರಿಸುವ ಸಚಿವರು: ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ದಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು

ವಿಷಯ : ಮೈಸೂರು ವಿಶ್ವವಿದ್ಯಾಲಯದ ಪಾರಂಪರಿಕ ಕಟ್ಟಡಗಳ ದುರಸ್ಥಿ ಬಗ್ಗೆ

(ಅ) ಮೈಸೂರು ಮಹಾರಾಜಾ ಕಾಲೇಜಿನ ಮೇಲ್ಛಾವಣಿ (ಸೀಲಿಂಗ್) ಕುಸಿದು ಬಿದ್ದು ವಿದ್ಯಾರ್ಥಿಗಳು ಗಾಯಗೊಂಡಿರುವ ಘಟನೆ ಸರ್ಕಾರದ ಗಮನಕ್ಕೆ ಬಂದಿದೆಯೇ; ನೂರು ವರ್ಷಗಳಷ್ಟು ಹಳೆಯದಾದ ಮಹಾರಾಜಾ ಕಾಲೇಜನ್ನು ಪಾರಂಪರಿಕ ಕಟ್ಟಡ ಎಂದು ಘೋಷಿಸಿ ಅದರ ಪೂರ್ಣ ದುರಸ್ಥಿಗೆ ಕೂಡಲೇ ಕ್ರಮ ತೆಗೆದುಕೊಳ್ಳಲಾಗುವುದೇ;

(ಆ) ಮೈಸೂರು ವಿಶ್ವವಿದ್ಯಾನಿಲಯದ ಮಾನಸಗಂಗೋತ್ರಿ ಆವರಣದಲ್ಲಿರುವ ಅಪರಾಧ ಮತ್ತು ನ್ಯಾಯಶಾಸ್ತ್ರ ವಿಭಾಗದ ಕಟ್ಟಡ, ಜಯಲಕ್ಷ್ಮೀ ವಿಲಾಸ ಮ್ಯಾನ್ಷನ್ ಮೊದಲಾದ ಹಳೆಯ ಪಾರಂಪರಿಕ ಕಟ್ಟಡಗಳನ್ನು ದುರಸ್ಥಿ ಮತ್ತು ನಿರ್ವಹಣೆ ಮಾಡಲು ಕ್ರಮ ತೆಗೆದುಕೊಳ್ಳಲಾಗುವುದೇ;

(ಇ) ಮೈಸೂರು ವಿಶ್ವವಿದ್ಯಾನಿಲಯದ ಕಾರ್ಯಸೌಧ, ಕ್ರಾಫರ್ಡ್ ಹಾಲ್ ಕೂಡಾ ಪಾರಂಪರಿಕ ಕಟ್ಟಡವಾಗಿದ್ದು, ಈ ಕಟ್ಟಡದ ಆಡಳಿತ ವಿಭಾಗದ ಮೇಲ್ಛಾವಣಿ ಕುಸಿದು ಬಿದ್ದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ಕಟ್ಟಡವನ್ನು ಕೂಡಾ ದುರಸ್ಥಿ ನಿರ್ವಹಣೆ ಮಾಡಲು ಕ್ರಮ ಜರುಗಿಸಲಾಗುವುದೇ?